ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೆರಡನೆಯ ಅಧಿವೇಶನ

ಮಂಗಳವಾರ, ದಿನಾಂಕ : 08 ನೇ ಡಿಸೆಂಬರ್, 2020

ಹಾಸನ ಜಿಲ್ಲೆಯಲ್ಲಿರುವ ಗಣಿ ನಿಕ್ಷೇಪಗಳ ಬಗ್ಗೆ

ಶ್ರೀ ಎಂ.ಎ. ಗೋಪಾಲಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

112 (125) ಮಾನ್ಯ ಗಣಿ ಮತ್ತು ಭೂವಿಜ್ಞಾನ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಹಾಸನ ಜಿಲ್ಲೆಯಲ್ಲಿ ಯಾವ ಯಾವ ರೀತಿಯ ಗಣಿ ನಿಕ್ಷೇಪಗಳನ್ನು ಗುರುತಿಸಲಾಗಿದೆ; ಇದರಲ್ಲಿ ಪ್ರಸ್ತುತ ಕಾರ್ಯನಿರ್ವಹಿಸುತ್ತಿರುವ ಗಣಿ ಪ್ರದೇಶಗಳು ಯಾವುವು ; (ಸಂಪೂರ್ಣ ವಿವರ ನೀಡುವುದು)

(ಆ) ಪ್ರಸ್ತುತ ಕಾರ್ಯನಿರ್ವಹಿಸುತ್ತಿರುವ ಗಣಿ ಪ್ರದೇಶಗಳಿಗೆ ಸರ್ಕಾರದಿಂದ ಮಂಜೂರಾಗಿರುವ ಜಾಗವೆಷ್ಟು ; ಖಾಸಗಿ ಜಮೀನುಗಳಲ್ಲಿ ಕಾರ್ಯನಿರ್ವಹಿಸುತ್ತಿರುವ ಗಣಿ ಪ್ರದೇಶಗಳು ಯಾವುವು ಮತ್ತು ಅವುಗಳ ವಿಸ್ತೀರ್ಣವೆಷ್ಟು ; (ಆದೇಶ ಸಹಿತ ವಿವರ ನೀಡುವುದು)

(ಇ) ಪ್ರಸ್ತುತ ಕಾರ್ಯನಿರ್ವಹಿಸುತ್ತಿರುವ ಗಣಿ ಪ್ರದೇಶಗಳನ್ನು ಯಾರಿಗೆ ಗುತ್ತಿಗೆ ನೀಡಲಾಗಿದೆ ಮತ್ತು ಎಷ್ಟು ವರ್ಷಗಳ ಅವಧಿಗೆ ಗುತ್ತಿಗೆಗೆ ನೀಡಲಾಗಿದೆ; ಸರ್ಕಾರ ಮತ್ತು ಗುತ್ತಿಗೆದಾರರ ನಡುವೆ ಆಗಿರುವ ಒಡಂಬಡಿಕೆಗಳೇನು ; (ಆದೇಶ ಸಹಿತ ವಿವರ ನೀಡುವುದು)

(ಈ) ಹಾಸನ ಜಿಲ್ಲೆಯಲ್ಲಿ ಕಾನೂನು ಬಾಹಿರವಾಗಿ ಗಣಿಗಾರಿಕೆ ನಡೆಸುತ್ತಿರುವ ಪ್ರಕರಣಗಳು ಕಂಡುಬಂದಿವೆಯೇ ; (ಪ್ರಕರಣವಾರು ಮಾಹಿತಿ ನೀಡುವುದು)

(ಉ) ಕಳೆದ 5 ವರ್ಷಗಳಲ್ಲಿ ಸಾಮಾಜಿಕ ಹೊಣೆಗಾರಿಕೆ ಯೋಜನೆಯಡಿ ಗಣಿ ಮತ್ತು ಭೂ ವಿಜ್ಞಾನ ಇಲಾಖೆಯಿಂದ ಹಾಸನ ಜಿಲ್ಲೆಗೆ ಬಿಡುಗಡೆಯಾಗಿರುವ ಅನುದಾನವೆಷ್ಟು ; ಈ ಅನುದಾನವನ್ನು ಯಾವ ಕಾಮಗಾರಿಗಳಿಗೆ ಬಳಸಲಾಗಿದೆ ? (ಸಂಪೂರ್ಣ ವಿವರ ನೀಡುವುದು)